


# ಕರ್ನಾಟಕ ವಿಧಾನ ಪರಿಷತ್ತು

## ನೂರ ನಲವತ್ತ ಮೂರನೆಯ ಅಧಿವೇಶನದ ಮುಂದುವರೆದ ಉಪವೇಶನ

## ಚುಕ್ಕೆ ರಹಿತ ಪ್ರಶ್ನೆ

ದಿನಾಂಕ : 22-03-2021 ಪ್ರಶ್ನೆ ಸಂಖ್ಯೆ : 1537 (1747)

ಸದಸ್ಯರ ಹೆಸರು ಮತ್ತು ಕ್ಷೇತ್ರ : ಶ್ರೀ ಎಂ.ಎ. ಗೋಪಾಲಸ್ವಾಮಿ (ಸ್ಥಳೀಯ ಸಂಸ್ಥೆಗಳ ಕ್ಷೇತ್ರ)

ಉತ್ತರ ನೀಡಬೇಕಾದ ದಿನಾಂಕ : 22-03-2021

ಉತ್ತರಿಸುವ ಸಚಿವರು : ಉಪ ಮುಖ್ಯಮಂತ್ರಿಗಳು ಹಾಗೂ ಉನ್ನತ ಶಿಕ್ಷಣ, ಮಾಹಿತಿ ತಂತ್ರಜ್ಞಾನ, ಜೈವಿಕ ತಂತ್ರಜ್ಞಾನ ಹಾಗೂ ವಿಜ್ಞಾನ ಮತ್ತು ತಂತ್ರಜ್ಞಾನ ಮತ್ತು ಕೌಶಲ್ಯಾಭಿವೃದ್ಧಿ, ಉದ್ಯಮಶೀಲತೆ ಮತ್ತು ಜೀವನೋಪಾಯ ಸಚಿವರು

ವಿಷಯ : ಸರ್ಕಾರಿ ಪದವಿ ಕಾಲೇಜುಗಳ ಬಗ್ಗೆ

(ಅ) ಹಾಸನ ಜಿಲ್ಲೆಯಲ್ಲಿ ಎಷ್ಟು ಸರ್ಕಾರಿ ಪದವಿ ಕಾಲೇಜುಗಳಿವೆ; ಈ ಕಾಲೇಜುಗಳಲ್ಲಿ ಲಭ್ಯವಿರುವ ಕೋರ್ಸ್‌ಗಳು ಯಾವುವು; ಈ ಕಾಲೇಜುಗಳು ಸ್ವಂತ ಕಟ್ಟಡಗಳನ್ನು ಹೊಂದಿವೆಯೇ; ಹೊಂದಿದ್ದಲ್ಲಿ, ಇವು ಸುಸ್ಥಿತಿಯಲ್ಲಿವೆಯೇ; (ತಾಲ್ಲೂಕುವಾರು ಮಾಹಿತಿ ನೀಡುವುದು)

(ಆ) ಹಾಸನ ಜಿಲ್ಲೆಯಲ್ಲಿ ಮೂಲಭೂತ ಸೌಕರ್ಯಗಳಿಲ್ಲದೆ ಶಿಥಿಲಗೊಂಡು ಬಳಕೆಗೆ ಯೋಗ್ಯವಿರದ ಸರ್ಕಾರಿ ಪದವಿ ಕಾಲೇಜುಗಳೆಷ್ಟು; ಇಂತಹ ಕಾಲೇಜುಗಳನ್ನು ನಡೆಸಲು ಬೇರೆ ವ್ಯವಸ್ಥೆ ಕಲ್ಪಿಸಲಾಗಿದೆಯೇ; ಈ ಕಾಲೇಜುಗಳನ್ನು ಪುನರ್ ನಿರ್ಮಾಣ ಮಾಡಲು ಸರ್ಕಾರವು ಕೈಗೊಂಡಿರುವ ಕ್ರಮಗಳೇನು; (ಕಾಲೇಜುವಾರು ಮಾಹಿತಿ ನೀಡುವುದು)

(ಇ) ಕಳೆದ 3 ವರ್ಷಗಳಲ್ಲಿ ಹಾಸನ ಜಿಲ್ಲೆಯಲ್ಲಿ ಶಿಥಿಲಗೊಂಡಿರುವ ಎಷ್ಟು ಸರ್ಕಾರಿ ಪದವಿ ಕಾಲೇಜುಗಳನ್ನು ಪುನರ್ ನಿರ್ಮಾಣ/ರಿಪೇರಿ ಮಾಡಲಾಗಿದೆ; ಇಲ್ಲಿ ಯಾವ ಕಾಮಗಾರಿಗಳನ್ನು ಕೈಗೊಳ್ಳಲಾಗಿದೆ; ಇದಕ್ಕಾಗಿ ಖರ್ಚು ಮಾಡಲಾಗಿರುವ ಅನುದಾನವೆಷ್ಟು; (ಶಾಲಾವಾರು ಮಾಹಿತಿ ನೀಡುವುದು)

(ಈ) ಹಾಸನ ಜಿಲ್ಲೆಯಲ್ಲಿರುವ ಸರ್ಕಾರಿ ಪದವಿ ಕಾಲೇಜುಗಳಲ್ಲಿ ಖಾಲಿ ಇರುವ ಉಪನ್ಯಾಸಕರ ಹುದ್ದೆಗಳೆಷ್ಟು; ಈ ಹುದ್ದೆಗಳನ್ನು ಭರ್ತಿ ಮಾಡಲು ಸರ್ಕಾರ ತೆಗೆದುಕೊಂಡ ಕ್ರಮಗಳೇನು? (ಕಾಲೇಜುವಾರು ಮಾಹಿತಿ ನೀಡುವುದು)